ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 13 ನೇ ಮಾರ್ಚ್, 2020

ಕೃಷ್ಣರಾಜನಗರಕ್ಕೆ ಹೆಚ್ಚಿನ ಬಸ್ ಸೌಕರ್ಯ ಕಲ್ಪಿಸುವುದು

ಶ್ರೀ ಎಸ್. ನಾಗರಾಜ್(ಸಂದೇಶ್‌ನಾಗರಾಜ್)(ಸ್ಥಳೀಯಸಂಸ್ಥೆಗಳಕ್ಷೇತ್ರ):-

926 (1081) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಸಾರಿಗೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಮೈಸೂರಿನಿಂದ ಕೃಷ್ಣರಾಜನಗರಕ್ಕೆ ಬೆಳಗ್ಗೆ 6 ರಿಂದ ಮಧ್ಯಾಹ್ನ 12 ರವರೆಗೆ ಪ್ರತಿ ಅರ್ಧ ಗಂಟೆಗೆ ಒಂದರಂತೆ ಎಕ್ಸ್‌ಪ್ರೆಸ್ ಅಥವಾ ನಾನ್ ಸ್ಟಾಪ್ ಬಸ್‌ಗಳನ್ನು ಓಡಿಸಲು ಕ್ರಮ ತೆಗೆದುಕೊಳ್ಳಲಾಗುವುದೇ;

(ಆ) ಪ್ರತಿದಿನ ಬೆಳಗ್ಗೆ 6 ಗಂಟೆಯಿಂದ 12 ಗಂಟೆಯವರೆಗೆ ಕೇವಲ 12 ಬಸ್‌ಗಳು ಕಾರ್ಯಾಚರಣೆ ಮಾಡುತ್ತಿದ್ದು, ಪ್ರತಿದಿನ ಈ ವೇಳೆಯಲ್ಲಿ ಸರ್ಕಾರಿ ನೌಕರರು ಸೇರಿದಂತೆ ಸುಮಾರು 500-600 ಪ್ರಯಾಣಿಕರು ದಿನನಿತ್ಯ ಮೈಸೂರಿನಿಂದ ಕೆ.ಆರ್. ನಗರಕ್ಕೆ ಪ್ರಯಾಣಿಸುತ್ತಿದ್ದು, ಬಸ್ ಸೌಲಭ್ಯ ಇಲ್ಲದೆ ತೊಂದರೆಗೆ ಒಳಗಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಇ) ಅದೇ ರೀತಿ ಸಂಜೆ 5 ಗಂಟೆಯಿಂದ 8 ಗಂಟೆಯವರೆಗೆ ಕೃಷ್ಣರಾಜನಗರದಿಂದ ಮೈಸೂರಿಗೆ ಹೆಚ್ಚಿನ ಬಸ್ ಸೌಲಭ್ಯ ಕಲ್ಪಿಸಲು ಕ್ರಮ ಜರುಗಿಸಲಾಗುವುದೇ ?